ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



**ಕರ್ನಾಟಕ ವಿಧಾನ ಪರಿಷತ್ತು**
ನೂರ ನಲವತ್ತೆರಡನೆಯ ಅಧಿವೇಶನ
ಶುಕ್ರವಾರ, ದಿನಾಂಕ: 11ನೇ ಡಿಸೆಂಬರ್, 2020

ಅಂಗನವಾಡಿ ಕಾರ್ಯಕರ್ತೆಯರ ಬೇಡಿಕೆಗಳ ಬಗ್ಗೆ

ಶ್ರೀ ರಘುನಾಥ ರಾವ್ ಮಲ್ಕಾಪುರೆ (ವಿಧಾನ ಸಭೆಯಿಂದ ಚುನಾಯಿತರಾದವರು):-

462(550) ಮಾನ್ಯ ಮಹಿಳಾ ಮತ್ತು ಮಕ್ಕಳ ಅಭಿವೃದ್ಧಿ ಹಾಗೂ ವಿಕಲಚೇತನರ ಮತ್ತು ಹಿರಿಯ ನಾಗರಿಕರ ಸಬಲೀಕರಣ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ರಾಜ್ಯದಲ್ಲಿರುವ ಅಂಗನವಾಡಿ ಕೇಂದ್ರಗಳ ಸಂಖ್ಯೆ ಎಷ್ಟು; ಇಲ್ಲಿ ಕಲಿಯುತ್ತಿರುವ ಮಕ್ಕಳ ಸಂಖ್ಯೆ ಎಷ್ಟು; (ಜಿಲ್ಲಾವಾರು ವಿವರ ನೀಡುವುದು)

(ಆ) ಈ ಕೇಂದ್ರಗಳಲ್ಲಿ ಸೇವೆ ಸಲ್ಲಿಸುತ್ತಿರುವ ಅಂಗನವಾಡಿ ಕಾರ್ಯಕರ್ತೆಯರ ಸಂಖ್ಯೆ ಎಷ್ಟು; (ಜಿಲ್ಲಾವಾರು ವಿವರ ನೀಡುವುದು)

(ಇ) ಅಂಗನವಾಡಿ ಕಾರ್ಯಕರ್ತೆಯರಿಗೆ ಸರ್ಕಾರ ನೀಡುತ್ತಿರುವ ಗೌರವ ಧನ ಎಷ್ಟು; ಗೌರವ ಧನದ ಜೊತೆಗೆ ನೀಡುತ್ತಿರುವ ಇನ್ನಿತರೆ ಸೌಲಭ್ಯಗಳು ಯಾವುವು;

(ಈ) ಪ್ರತಿ ತಿಂಗಳು ಸಮಯಕ್ಕೆ ಸರಿಯಾಗಿ ಗೌರವ ಧನ ಪಾವತಿಯಾಗದಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಹಾಗಿದ್ದಲ್ಲಿ, ಇದಕ್ಕೆ ಕಾರಣಗಳೇನು; ಸಮಯಕ್ಕೆ ಸರಿಯಾಗಿ ಗೌರವ ಧನ ಪಾವತಿಸಲು ಕೈಗೊಂಡಿರುವ ಕ್ರಮಗಳೇನು;

(ಉ) ಅಂಗನವಾಡಿ ಕಾರ್ಯಕರ್ತೆಯರ ಬೇಡಿಕೆಗಳೇನು; ಅವರ ಬೇಡಿಕೆಗಳನ್ನು ಈಡೇರಿಸಲು ಹಾಗೂ ಗೌರವ ಧನ ಹೆಚ್ಚಳ ಮಾಡುವ ಕುರಿತು ಸರ್ಕಾರದ ನಿಲುವೇನು?